ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಬೀದರ್ ಜಿಲ್ಲೆಯಲ್ಲಿ ನಡೆಯುತ್ತಿರುವ ಎಂ.ಎಸ್.ಪಿ.ಟಿ.ಸಿ ಗಳ ಬಗ್ಗೆ

ಶ್ರೀ ಅರವಿಂದ ಕುಮಾರ್ ಅರಳಿ (ವಿಧಾನಸಭೆಯಿಂದ ಚುನಾಯಿತರಾದವರು):-

406(583) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬೀದರ್ ಜಿಲ್ಲೆಯಲ್ಲಿ ಸುಮಾರು 4 ರಿಂದ 5 ಎಂ.ಎಸ್.ಪಿ.ಟಿ.ಸಿ ನಡೆಯುತ್ತಿದ್ದು ಇದರಿಂದ ಗುಣಮಟ್ಟದ ಆಹಾರ ಸರಬರಾಜು ಮಾಡಲು ಆಗುತ್ತಿಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಯಾವ ಕ್ರಮ ಕೈಗೊಳ್ಳಲಾಗಿದೆ;

(ಆ) ಇದಕ್ಕೆ ಯಾರು ಹೊಣೆಗಾರರು; ಹಾಗೂ ಅಂತಹ ಅಧಿಕಾರಿಗಳ ವಿರುದ್ಧ ಯಾವ ಕ್ರಮ ವಹಿಸಲಾಗಿದೆಯೇ; ಕ್ರಮ ಕೈಗೊಳ್ಳದಿದ್ದಲ್ಲಿ ಇದಕ್ಕೆ ಕಾರಣವೇನು;

(ಇ) ವಿಕಲಚೇತನರ ಹಾಗೂ ಹಿರಿಯ ನಾಗರಿಕರ ಸಬಲೀಕರಣ ಇಲಾಖೆಯಲ್ಲಿ 2004ರಲ್ಲಿ ರಚಿಸಿರುವ ವೃಂದ ಮತ್ತು ನೇರ ನೇಮಕಾತಿ ನಿಯಮಗಳನ್ನು ಪರಿಷ್ಕರಣೆ ಮಾಡುವ ಯೋಜನೆ ಸರ್ಕಾರದ ಮುಂದಿದೆಯೇ; ಇದ್ದಲ್ಲಿ, ಯಾವ ಕಾಲಮಿತಿಯೊಳಗೆ ಕ್ರಮ ವಹಿಸಲಾಗುವುದು;

(ಈ) ಹೈದರಾಬಾದ್ ಕರ್ನಾಟಕ ಪ್ರದೇಶ ಸಂವಿಧಾನ ಅನುಚ್ಛೇದ 371 ಜೆ ಅಡಿಯಲ್ಲಿ ಸ್ಥಳೀಯ ರಾಜ್ಯ ವೃಂದ ರಚಿಸಿ ಅಧಿಸೂಚನೆ ಹೊರಡಿಸಲಾಗಿದೆಯೇ;

(ಉ) ರಾಜ್ಯ ವೃಂದದಲ್ಲಿ ಇರುವ ಸಹಾಯಕ ನಿರ್ದೇಶಕರ ಒಂದು ಮತ್ತು ಸಹಾಯಕ ಆಯುಕ್ತರು ಒಂದು ಹುದ್ದೆ ಇದ್ದು ಹೈದರಾಬಾದ್ ಕರ್ನಾಟಕ ಪ್ರದೇಶಕ್ಕೆ ರಾಜ್ಯ ವೃಂದದ ಯಾವ ಹುದ್ದೆ ನಿಗದಿಗೊಳಿಸಲಾಗಿರುತ್ತದೆ?